

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 785
ಸದಸ್ಯರ ಹೆಸರು : ಶ್ರೀ ಎಸ್. ನಾಗರಾಜ್ (ಸಂದೇಶ್ ನಾಗರಾಜ್) (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಉತ್ತರಿಸಬೇಕಾದ ದಿನಾಂಕ : 09.03.2021
ಉತ್ತರಿಸಬೇಕಾದ ಸಚಿವರು : ನಗರಾಭಿವೃದ್ಧಿ ಸಚಿವರು

| | ಪ್ರಶ್ನೆ | ಉತ್ತರ |
|---|---|---|
| ಅ) | ಮೈಸೂರು ನಗರದ ರಿಂಗ್ ರೋಡ್ ಉದ್ದಕ್ಕೂ ಎರಡೂ ಬದಿಯಲ್ಲಿ ಕಟ್ಟಡ ತ್ಯಾಜ್ಯ ಜೈವಿಕ ತ್ಯಾಜ್ಯಗಳನ್ನು ತಂದು ಸುರಿಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದನ್ನು ತಡೆಗಟ್ಟಲು ಹಾಗೂ ರಿಂಗ್ ರಸ್ತೆಯ ಆವರಣವನ್ನು ಸ್ವಚ್ಛವಾಗಿಡಲು ಕೈಗೊಂಡಿರುವ ಕ್ರಮಗಳೇನು; | ಬಂದಿದೆ.<br><br>ರಿಂಗ್ ರಸ್ತೆಯ ಎರಡೂ ಬದಿಯಲ್ಲಿ ಎಸೆದಿರುವ ತ್ಯಾಜ್ಯವನ್ನು ಸಂಪೂರ್ಣ ತೆರವುಗೊಳಿಸಿ, ಸದರಿ ಜಾಗದಲ್ಲಿ ತ್ಯಾಜ್ಯ ಸುರಿಯುವವರ ವಿರುದ್ಧ ದಂಡ ವಿಧಿಸಲು ಕ್ರಮವಹಿಸಲಾಗುತ್ತಿದೆ.<br><br>ಮೈಸೂರು ನಗರ ಸಾತಗಳ್ಳಿ 'ಬಿ' ವಲಯದಲ್ಲಿರುವ ಸಾತಗಳ್ಳಿ ಸರ್ವೆ ನಂಬರ್ 88, 105, 106 ಮತ್ತು 107 ರಲ್ಲಿ ಒಟ್ಟು 19.15 ಎಕರೆ ವಿಸ್ತೀರ್ಣದ ಪ್ರದೇಶವನ್ನು ಘನತ್ಯಾಜ್ಯ, ಕಟ್ಟಡತ್ಯಾಜ್ಯ ವಿಲೇವಾರಿ ಮಾಡುವುದಕ್ಕಾಗಿ ಮೈಸೂರು ನಗರಾಭಿವೃದ್ಧಿ ಪ್ರಾಧಿಕಾರದಿಂದ ಜಾಗ ಹಸ್ತಾಂತರಿಸಿಕೊಳ್ಳಲಾಗಿದೆ. ಮುಂದಿನ ದಿನಗಳಲ್ಲಿ ಮೈಸೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಉತ್ಪತ್ತಿಯಾಗುವ ಕಟ್ಟಡ ತ್ಯಾಜ್ಯವನ್ನು ಸಂಸ್ಕರಿಸುವ ವ್ಯವಸ್ಥೆ ಮಾಡಲಾಗುವುದು.<br><br>ಮುಂದುವರೆದು, ಮಾನ್ಯ ಜಿಲ್ಲಾ ಉಸ್ತುವಾರಿ ಸಚಿವರ ಅಧ್ಯಕ್ಷತೆಯಲ್ಲಿ ದಿನಾಂಕ: 26.01.2021 ರಂದು ನಡೆದ ಸಭೆಯಲ್ಲಿ ಹೊರವರ್ತುಲ ರಸ್ತೆ ಎರಡು ಬದಿಗಳಲ್ಲಿ ಕಟ್ಟಡ ತ್ಯಾಜ್ಯಗಳನ್ನು ವಿಲೇವಾರಿ ಮಾಡಲು ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಇಲಾಖೆ, ರಾಜ್ಯ ಹೆದ್ದಾರಿ ಇಲಾಖೆ, ನಗರಾಭಿವೃದ್ಧಿ ಪ್ರಾಧಿಕಾರ, ನಿರ್ಮಿತಿ ಕೇಂದ್ರ ಹಾಗೂ ಕೆ.ಆರ್.ಐ.ಡಿ.ಎಲ್. ಒಳಗೊಂಡಂತೆ 06 ತಂಡಗಳನ್ನು ರಚಿಸಲಾಗಿದ್ದು, ದಿನಾಂಕ: 30.01.2021 ರಿಂದ ಈ ತಂಡಗಳಿಂದ ತ್ಯಾಜ್ಯ ವಿಲೇವಾರಿ ಮಾಡಲು ಕ್ರಮ ಕೈಗೊಳ್ಳಲಾಗುತ್ತಿದೆ. |
| ಆ) | ರಿಂಗ್ ರಸ್ತೆಯ ಉದ್ದಕ್ಕೂ ಎಲ್.ಇ.ಡಿ ಅಥವಾ ಸೋಡಿಯಂ ವೇಪರ್ ದೀಪಗಳನ್ನು ಅಳವಡಿಸಲು ಕ್ರಮ ಜರುಗಿಸಲಾಗುವುದೇ; | ಹಾಲಿ ಇರುವ ಸಾಂಪ್ರದಾಯಿಕ ಬೀದಿದೀಪಗಳನ್ನು ಬದಲಿಸಿ ಕೇಂದ್ರೀಕೃತ ಚಾಲನೆ ಮತ್ತು ನಿರ್ವಹಣೆಯುಳ್ಳ ಇಂಧನ ಕ್ಷಮತೆಯ ಎಲ್.ಇ.ಡಿ. ಬೀದಿದೀಪಗಳನ್ನು ಅಳವಡಿಸುವ ಕಾಮಗಾರಿಯಡಿಯಲ್ಲಿ ಮೈಸೂರು ಮಹಾನಗರ ಪಾಲಿಕೆ ವತಿಯಿಂದ ಸದರಿ ರಸ್ತೆಯಲ್ಲಿರುವ ಬೀದಿದೀಪಗಳನ್ನು ಬದಲಾಯಿಸುವ ಕಾಮಗಾರಿಯು ಟೆಂಡರ್ ಹಂತದಲ್ಲಿರುತ್ತದೆ. |
| ಇ) | ರಿಂಗ್ ರಸ್ತೆ ಪಕ್ಕ ಕಸ ಸುರಿಯುವವರನ್ನು ಪತ್ತೆ ಹಚ್ಚಲು, ಅಪರಾಧ ಚಟುವಟಿಕೆಗಳನ್ನು ಹತ್ತಿಕ್ಕಲು ಅನುಕೂಲವಾಗುವಂತೆ ಸಿ.ಸಿ. ಟಿ.ವಿ ಕ್ಯಾಮರಾ ಅಳವಡಿಸಲು ಕ್ರಮ ಜರುಗಿಸಲಾಗುವುದೇ; | ರಿಂಗ್ ರಸ್ತೆ ಪಕ್ಕ ಕಸ ಸುರಿಯುವವರನ್ನು ಪತ್ತೆಹಚ್ಚುವ ಸಲುವಾಗಿ ಮೈಸೂರು ಮಹಾನಗರ ಪಾಲಿಕೆ ಹಾಗೂ ಮೈಸೂರು ನಗರಾಭಿವೃದ್ಧಿ ಪ್ರಾಧಿಕಾರದ ವತಿಯಿಂದ ಸಿ.ಸಿ ಕ್ಯಾಮೆರಾ ಅಳವಡಿಸಲು ಕ್ರಮ ಕೈಗೊಳ್ಳಲಾಗುತ್ತದೆ. |

ನಅಇ 36 ಎಸಿಎಂ 2021 (ಇ)

(ಬಿ.ಎ. ಬಸವರಾಜ)
ನಗರಾಭಿವೃದ್ಧಿ ಸಚಿವರು